# ಕರ್ನಾಟಕ ವಿಧಾನ ಪರಿಷತ್ತು

ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ : 768

ವಿಧಾನ ಪರಿಷತ್ತಿನ ಸದಸ್ಯರ ಹೆಸರು : ಶ್ರೀ ಬಿ.ಜಿ. ಪಾಟೀಲ್ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ)

ಉತ್ತರಿಸಬೇಕಾದ ದಿನಾಂಕ : 10.03.2020

ಉತ್ತರಿಸುವ ಸಚಿವರು : ಆಹಾರ, ನಾಗರಿಕ ಸರಬರಾಜು ಮತ್ತು ಗ್ರಾಹಕರ ವ್ಯವಹಾರಗಳ ಹಾಗೂ ಕಾನೂನು ಮಾಪನಶಾಸ್ತ್ರ ಇಲಾಖಾ ಸಚಿವರು.

| ಕ್ರ. ಸಂ | ಪ್ರಶ್ನೆ | ಉತ್ತರ |
|---|---|---|
| ಅ | ಕಲಬುರಗಿ ಮತ್ತು ಯಾದಗಿರಿ ಜಿಲ್ಲೆಗಳಲ್ಲಿ ಬಿ.ಪಿ.ಎಲ್ ಕಾರ್ಡ್ ಕೋರಿ ಬಂದ ಅರ್ಜಿಗಳು ಎಷ್ಟು; (ವಿವರ ನೀಡುವುದು) | 2019ನೇ ಸಾಲಿನಲ್ಲಿ ಇದುವರೆವಿಗೂ ಕಲಬುರಗಿ ಜಿಲ್ಲೆಯಲ್ಲಿ 26738 ಹಾಗೂ ಯಾದಗಿರಿ ಜಿಲ್ಲೆಯಲ್ಲಿ 12883 ಅರ್ಜಿಗಳು ಆದ್ಯತಾ (ಬಿಪಿಎಲ್)ಪಡಿತರ ಚೀಟಿಗಾಗಿ ಸ್ವೀಕೃತಗೊಂಡಿರುತ್ತವೆ. |
| ಆ | ಇದುವರೆಗೂ ವಿತರಿಸಿದ ಬಿ.ಪಿ.ಎಲ್ ಕಾರ್ಡ್ ಗಳ ಸಂಖ್ಯೆ ಎಷ್ಟು; (ವಿವರ ನೀಡುವುದು) | 2019ನೇ ಸಾಲಿನಲ್ಲಿ ಕಲಬುರಗಿ ಜಿಲ್ಲೆಯಲ್ಲಿ 11863 ಹಾಗೂ ಯಾದಗಿರಿ ಜಿಲ್ಲೆಯಲ್ಲಿ 7373 ಆದ್ಯತಾ (ಬಿಪಿಎಲ್)ಪಡಿತರ ಚೀಟಿಗಳನ್ನು ವಿತರಿಸಲಾಗಿದೆ. |
| ಇ | ಇನ್ನೂ ವಿತರಣೆಗೆ ಬಾಕಿ ಇರುವ ಅರ್ಜಿಗಳ ಸಂಖ್ಯೆ ಎಷ್ಟು; (ವಿವರ ನೀಡುವುದು) | 2019ನೇ ಸಾಲಿನಲ್ಲಿ ಕಲಬುರಗಿ ಜಿಲ್ಲೆಯಲ್ಲಿ 14875 ಹಾಗೂ ಯಾದಗಿರಿ ಜಿಲ್ಲೆಯಲ್ಲಿ 5510 ಆದ್ಯತಾ (ಬಿಪಿಎಲ್)ಪಡಿತರ ಚೀಟಿಗಳನ್ನು ಕೋರಿ ಸಲ್ಲಿಸಿರುವ ಅರ್ಜಿಗಳು ಬಾಕಿ ಇರುತ್ತವೆ. |
| ಈ | ಬಿ.ಪಿ.ಎಲ್ ಕಾರ್ಡ್ ಗಳ ಕುಟುಂಬದವರಿಗೆ ಸರಿಯಾದ ಸಮಯದಲ್ಲಿ ಆಹಾರ ಧಾನ್ಯಗಳನ್ನು ವಿತರಿಸಲಾಗುತ್ತಿದೆಯೇ? | ರಾಜ್ಯದಲ್ಲಿನ ಎಲ್ಲಾ ಪಡಿತರ ಚೀಟಿದಾರರಿಗೆ ನಿಗದಿತ ಸಮಯದಲ್ಲಿ ಆಹಾರಧಾನ್ಯಗಳನ್ನು ವಿತರಣೆ ಮಾಡಲು ಕ್ರಮವಹಿಸಲಾಗಿದೆ. ಬೀದರ್ ಜಿಲ್ಲೆಯ ಎಲ್ಲಾ ಪಡಿತರ ಚೀಟಿಗಳು ಮತ್ತು ಫಲಾನುಭವಿಗಳನ್ನು ಅವರ ಆಧಾರ್ ನೊಂದಿಗೆ ಜೋಡಣೆ ಮಾಡಿದ್ದು, ಪ್ರತಿ ಮಾಹೆ ಪಡಿತರ ಪದಾರ್ಥಗಳನ್ನು ನಿರ್ದಿಷ್ಟ ಫಲಾನುಭವಿಗಳಿಗೆ ತಲುಪಿಸಲು ಬಯೋಮೆಟ್ರಿಕ್ ವ್ಯವಸ್ಥೆಯನ್ನು ಜಾರಿಗೆ ತರಲಾಗಿದೆ. ಎಲ್ಲಾ ನ್ಯಾಯಬೆಲೆ ಅಂಗಡಿಗಳಲ್ಲಿ ಪಿ.ಓ.ಎಸ್ ವ್ಯವಸ್ಥೆ ಜಾರಿಗೊಳಿಸಿದೆ. |

ಆನಾಸ 65 ಡಿಆರ್ ಎ 2020 (ಇ-ಆಫೀಸ್)

(ಕೆ.ಗೋಪಾಲಯ್ಯ)
ಆಹಾರ, ನಾಗರಿಕ ಸರಬರಾಜು ಮತ್ತು
ಗ್ರಾಹಕರ ವ್ಯವಹಾರಗಳ ಹಾಗೂ
ಕಾನೂನು ಮಾಪನಶಾಸ್ತ್ರ ಇಲಾಖಾ ಸಚಿವರು.